ವಿವಿಧ ಉತ್ಸವಗಳಿಗೆ ಹಾಗೂ ಸಾಂಸ್ಕøತಿಕ ಕಾರ್ಯಕ್ರಮಗಳಿಗೆ ಸಂಬಂಧಿಸಿದ ಬಗ್ಗೆ

ಶ್ರೀ ಹೆಚ್.ಎಂ. ರಮೇಶ ಗೌಡ (ವಿಧಾನ ಸಭೆಯಿಂದ ಚುನಾಯಿತರಾದವರು):-

48 (58) ಮಾನ್ಯ ಪ್ರವಾಸೋದ್ಯಮ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ವಿವಿಧ ಪ್ರವಾಸಿ ಕ್ಷೇತ್ರಗಳಿಗೆ ಪ್ರವಾಸೋದ್ಯಮ ಅಭಿವೃದ್ಧಿಗಾಗಿ ಆಯೋಜಿಸಿದ ವಿವಿಧ ಉತ್ಸವಗಳು ಹಾಗೂ ಸಾಂಸ್ಕೃತಿಕ ಕಾರ್ಯಕ್ರಮಗಳಿಗೆ ಕಳೆದ ವರ್ಷ ವ್ಯಯವಾದ ಒಟ್ಟು ಹಣವೆಷ್ಟು; (ವಿವರ ನೀಡುವುದು)

(ಆ) ಚಾರಿತ್ರಿಕ ಪ್ರವಾಸಿ ತಾಣಗಳಾದ ಚಿತ್ರದುರ್ಗ, ಹಂಪಿ, ಬನವಾಸಿ, ಬಾದಾಮಿ ಮುಂತಾದ ಕಡೆಗಳಲ್ಲಿ ಪ್ರವಾಸಿಗಳ ಸಂಖ್ಯೆ ಗಣನೀಯವಾಗಿ ಕಡಿಮೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಈ ಬಗ್ಗೆ ಸರ್ಕಾರ ಯಾವ ಕ್ರಮಗಳನ್ನು ಕೈಗೊಳ್ಳಲಾಗಿದೆ ;

(ಇ) ರಾಜ್ಯದ ಪ್ರವಾಸಿ ತಾಣಗಳಲ್ಲಿ ಸೂಕ್ತ ಮೂಲ ಸೌಕರ್ಯಗಳಿಲ್ಲ ಎನ್ನುವ ದೂರುಗಳು ಬಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ಯಾವ ಕ್ರಮ ಕೈಗೊಂಡಿದೆ;

(ಈ) ಕರ್ನಾಟಕದ ಇಕೋ ಟೂರಿಸಂ ಅಭಿವೃದ್ಧಿಗೆ ಪ್ರವಾಸೋದ್ಯಮ ಇಲಾಖೆ ಯಾವ ಕ್ರಮ ಕೈಗೊಂಡಿದೆ ; (ಮಾಹಿತಿ ನೀಡುವುದು)

(ಉ) ರಾಜ್ಯದ ಚಾರಿತ್ರಿಕ, ಸಾಂಸ್ಕೃತಿಕ ಹಾಗೂ ಧಾರ್ಮಿಕ ಪ್ರವಾಸೋದ್ಯಮದ ಸಮಗ್ರ ಅಭಿವೃದ್ಧಿಗೆ ಸರ್ಕಾರದ ಬಳಿ ಯಾವ ಹೊಸ ಯೋಜನೆಗಳಿವೆ ? (ಮಾಹಿತಿ ನೀಡುವುದು)